ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 110(230)
ಸದಸ್ಯರ ಹೆಸರು : ಶ್ರೀ ಶಶೀಲ್ ಜಿ..ನಮೋಶಿ(ಶಿಕ್ಷಕರ ಕ್ಷೇತ್ರ)
ಉತ್ತರಿಸುವ ದಿನಾಂಕ : 13-09-2021
ಉತ್ತರಿಸುವ ಸಚಿವರು : ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರು

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ | ರಾಜ್ಯದ ಅನುದಾನಿತ ಶಾಲಾ ಕಾಲೇಜುಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಶಿಕ್ಷಕರುಗಳಿಗೆ ಕಾಲ್ಪನಿಕ ವೇತನ ನೀಡುವ ಕುರಿತು ರಚನೆಯಾಗಿದ್ದ ಶ್ರೀ ಬಸವರಾಜ ಹೊರಟ್ಟಿ ರವರ ಅಧ್ಯಕ್ಷತೆಯ ಸಮಿತಿಯು ಸರ್ಕಾರಕ್ಕೆ ವರದಿಯನ್ನು ಸಲ್ಲಿಸಿದೆಯೇ; ಸಲ್ಲಿಸಿದ್ದಲ್ಲಿ, ಯಾವ ವರ್ಷದಲ್ಲಿ ಸಲ್ಲಿಸಲಾಯಿತು;(ವರದಿ ಪ್ರತಿಯನ್ನು ನೀಡುವುದು) | • ಹೌದು.<br>• ಶ್ರೀ ಬಸವರಾಜ ಹೊರಟ್ಟಿ ರವರ ಅಧ್ಯಕ್ಷತೆಯಲ್ಲಿ ಸಮಿತಿಯನ್ನು ದಿನಾಂಕ:25.09.2014 ರಂದು ರಚಿಸಲಾಗಿತ್ತು. ಆರ್ಥಿಕ ಪರಿಣಾಮಗಳನ್ನು ಕರಾರುವಕ್ಕಾಗಿ ನಿರ್ಣಯಿಸುವ ಸಲುವಾಗಿ ಈ ಸಮಿತಿಯನ್ನು ಪುನರುಜ್ಜೀವನಗೊಳಿಸಿ ದಿನಾಂಕ:11.07.2017ರಂದು ವಿಶೇಷ ಸದನ ಸಮಿತಿಯನ್ನು ರಚಿಸಲಾಗಿದೆ. ಸದರಿ ಸಮಿತಿಯು ವರದಿಯನ್ನು ಸರ್ಕಾರಕ್ಕೆ ಸಲ್ಲಿಸಿರುತ್ತದೆ.<br>• ವರದಿಯ ಪ್ರತಿಯನ್ನು ಇದರೊಂದಿಗೆ ಲಗತ್ತಿಸಿದೆ. |
| ಆ | ಸದರಿ ವರದಿಯ ಶಿಫಾರಸ್ಸಿನ ಮುಖ್ಯ ಅಂಶಗಳೇನು;(ವಿವರ ನೀಡುವುದು) | ಖಾಸಗಿ ಅನುದಾನಿತ ಸಿಬ್ಬಂಧಿಗಳಿಗೆ ಕಾಲ್ಪನಿಕ ವೇತನ ನಿಗದಿಪಡಿಸುವ ಸಂಬಂಧವಾಗಿ ರಚಿಸಲಾಗಿರುವ ವಿಶೇಷ ಸದನ ಸಮಿತಿಯ ಶಿಫಾರಸ್ಸುಗಳು ಈ ಕೆಳಕಂಡಂತ್ತಿರುತ್ತವೆ:-<br>1. ಖಾಸಗಿ ಅನುದಾನಿತ ಶಿಕ್ಷಣ ಸಂಸ್ಥೆಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿರುವ ಅನುದಾನಿತ ಸಿಬ್ಬಂದಿಯವರಿಗೆ ಕಾಲ್ಪನಿಕ ವೇತನ ನಿಗದಿ ಮಾಡಿ, ವೇತನವನ್ನು ಪುನರ್ ನಿಗದಿಪಡಿಸಿ ವೇತನ ಸೌಲಭ್ಯವನ್ನು ಹಾಗೂ ಪಿಂಚಣಿ, ಗ್ರಾಚ್ಯುಟಿ ಸೌಲಭ್ಯವನ್ನು ನೀಡುವುದು.<br>2. ಅನುದಾನರಹಿತ ಅವಧಿಯನ್ನು ಪರಿಗಣಿಸಿ ಪದೋನ್ನತಿ Time bond ಹಾಗೂ ಪ್ಲೇಸ್‌ಮೆಂಟ್ ಸೌಲಭ್ಯವನ್ನು ನೀಡುವುದು.<br>3. ಕಾಲ್ಪನಿಕ ವೇತನ ನಿಗದಿಪಡಿಸಿದ ನಂತರ ಯಾವುದೇ ನೌಕರರು ಹಿಂದಿನ ಯಾವುದೇ ಬಾಕಿಯನ್ನು ಕೇಳುವಂತಿಲ್ಲ.<br>4. ನ್ಯಾಯಾಲಯದಲ್ಲಿ ಈ ಪ್ರಕರಣಕ್ಕೆ ಸಂಬಂಧಿಸಿದಂತೆ ದಾವೆ ಹೂಡಿರುವವರು ತಮ್ಮ ಪ್ರಕರಣಗಳನ್ನು ವಾಪಸ್ ಪಡೆದಲ್ಲಿ ಈ ಸೌಲಭ್ಯಕ್ಕೆ ಅರ್ಹರಿರುತ್ತಾರೆಂಬ ಅಂಶವನ್ನು ಇಲಾಖೆಯ ಆದೇಶದಲ್ಲಿ ಸ್ಪಷ್ಟಪಡಿಸುವುದು.<br>5. ಈಗಾಗಲೇ ಈ ಸೌಲಭ್ಯವನ್ನು ಪಡೆಯುತ್ತಿರುವವರಿಗೆ ಯಥಾವತ್ತಾಗಿ ಮುಂದುವರೆಸುವುದು ಹಾಗೂ ಈಗಾಗಲೇ ಆರ್ಥಿಕ ಸೌಲಭ್ಯಗಳನ್ನು ಪಡೆದು ನಿವೃತ್ತಿ ಆಗಿರುವ /ಆಗಲಿರುವ ನೌಕರರಿಗೆ ಯಾವುದೇ ರೀತಿಯ ಆರ್ಥಿಕ ಕಡಿತವನ್ನು ಮಾಡಬಾರದು. ನಿವೃತ್ತಿ ವೇತನ ನಿಗದಿಪಡಿಸುವಾಗ ಅನುದಾನ ರಹಿತ ಅವಧಿಯನ್ನು ಕಡಿತಗೊಳಿಸಿ ಪುನರ್ ನಿಗದಿಪಡಿಸಬಾರದು.<br>6. ನಿವೃತ್ತರಾಗುತ್ತಿರುವವರಿಗೆ ನಿವೃತ್ತಿ ಉಪಧನವನ್ನು ಕಡಿತಗೊಳಿಸದಂತೆ ಸರ್ಕಾರಿ ಆದೇಶ ಹೊರಡಿಸುವುದು. |
| ಇ | ಸದರಿ ವರದಿಯ ಶಿಫಾರಸ್ಸುಗಳನ್ನು | |

| | | |
|---|---|---|
| | ಅನುಷ್ಠಾನಗೊಳಿಸಲು ಸರ್ಕಾರ ಕ್ರಮ ಕೈಗೊಂಡಿದೆಯೇ; | ಅನುದಾನ ಸಂಹಿತೆಯ ಪ್ರಕಾರ ಅನುದಾನಕ್ಕೊಳಪಟ್ಟ ಸಿಬ್ಬಂದಿಗೆ ಅನುದಾನ ದೊರೆತ ದಿನಾಂಕದಿಂದ ಮಾತ್ರ ಕನಿಷ್ಟ ವೇತನ ನಿಗದಿ ಮಾಡಬೇಕೆಂದು, ಹಿಂದಿನ ಸೇವಾವಧಿಯನ್ನು ಯಾವುದೇ ಸೇವಾ ಸೌಲಭ್ಯಕ್ಕೆ ಪರಿಗಣಿಸುವಂತಿಲ್ಲ. ಈ ಸಂಬಂಧ ಸರ್ಕಾರವು ದಿನಾಂಕ:01-06-1995 ರಿಂದಲೇ ಪೂರ್ವಾನ್ವಯವಾಗಿ ಜಾರಿಗೆ ಬರುವಂತೆ ಕರ್ನಾಟಕ ಖಾಸಗಿ ಅನುದಾನಿತ - ಶೈಕ್ಷಣಿಕ ಸಂಸ್ಥೆಗಳ ಸಿಬ್ಬಂಧಿಗಳ (ವೇತನ, ನಿವೃತ್ತಿ ವೇತನ ಮತ್ತು ಇತರೇ ಸೌಲಭ್ಯಗಳ ನಿಯಂತ್ರಣ) ಅಧಿನಿಯಮ 2014ನ್ನು ಜಾರಿಗೆ ತರಲಾಗಿದೆ.<br>ಈ ಅಧಿನಿಯಮವನ್ನು ಅನುದಾನಿತ ಶಿಕ್ಷಣ ಸಂಸ್ಥೆಗಳ ಸಿಬ್ಬಂದಿಗಳು ಪ್ರಶ್ನಿಸಿರುವ ರಿಟ್ ಅರ್ಜಿಗಳಾದ 21216/2014 ಮತ್ತು 14307/2014 ಮತ್ತು ತತ್ಸಂಬಂಧದ ಪ್ರಕರಣಗಳಲ್ಲಿ ಮಾನ್ಯ ಉಚ್ಚನ್ಯಾಯಾಲಯವು ದಿನಾಂಕ:10-07-2015ರಂದು ನೀಡಿದ ತೀರ್ಪಿನಲ್ಲಿ ಸದರಿ ಅಧಿನಿಯಮವನ್ನು "struck down " ಮಾಡಿರುತ್ತದೆ.<br><br>ಮೇಲಿನ ಮಾನ್ಯ ನ್ಯಾಯಾಲಯದ ತೀರ್ಪನ್ನು ಪ್ರಶ್ನಿಸಿ ಸರ್ಕಾರವು ಮಾನ್ಯ ಉಚ್ಚನ್ಯಾಯಾಲಯ , ಬೆಂಗಳೂರು ಇಲ್ಲಿ ರಿಟ್ ಅಪೀಲ್ ಸಂಖ್ಯೆ:2476/2015 ಮತ್ತು 2467/2015ನ್ನು ದಾಖಲಿಸಿದೆ. ಮೇಲಿನ ರಿಟ್ ಅರ್ಜಿಗಳಲ್ಲಿ ನೀಡಿದ ತೀರ್ಪಿಗೆ ದಿನಾಂಕ:27-11-2015ರಂದು ತಡೆಯಾಜ್ಞೆ ನೀಡಿರುತ್ತದೆ.ಸದರಿ ತಡೆಯಾಜ್ಞೆಯು ಪ್ರಸ್ತುತ ಜಾರಿಯಲ್ಲಿದ್ದು, ಪ್ರಕರಣವು ಮಾನ್ಯ ನ್ಯಾಯಾಲಯದಲ್ಲಿ ಬಾಕಿಯಿರುತ್ತದೆ.<br><br>ಸಮಿತಿಯ ವರದಿ ಮತ್ತು ಇಲಾಖೆಗಳಲ್ಲಿನ ವಾಸ್ತವ ಅಂಕಿಅಂಶಗಳನ್ನು ಪರಿಶೀಲಿಸಲಾಗಿ, ಹಾಲಿ ನೀಡಲಾಗುತ್ತಿರುವ ವೇತನಕ್ಕೆ ಅನುದಾನ ರಹಿತ ಅವಧಿಯನ್ನು ಪರಿಗಣನೆಗೆ ತೆಗೆದುಕೊಂಡು ವೇತನವನ್ನು ಪರಿಷ್ಕರಿಸಿದಲ್ಲಿ ಹೆಚ್ಚುವರಿಯಾಗಿ ವಾರ್ಷಿಕವಾಗಿ ರೂ.359.87ಕೋಟಿಗಳ ಅನುದಾನವು ಬೇಕಾಗುತ್ತದೆ. ಆದರೆ, ಅವರಿಗೆ ಹಿಂಬಾಕಿ ಮತ್ತು ಪಿಂಚಣಿಗಾಗಿ ತಗಲುವ ಅಂದಾಜು ವೆಚ್ಚವು ಪ್ರಸ್ತಾಪಿತ ರೂ.359.87 ಕೋಟಿಗಳಲ್ಲಿ ಒಳಗೊಂಡಿರುವುದಿಲ್ಲ. ಸದರಿ ರೂ.359..87ಕೋಟಿ ಒಂದು ವರ್ಷಕ್ಕೆ ಬೇಕಾದ ಹೆಚ್ಚುವರಿ ಮೊತ್ತವಾಗುತ್ತದೆ. ಈ ಅನುಕೂಲ ಪಡೆಯುವ ಸಿಬ್ಬಂದಿ ಪೂರ್ಣ ಸೇವಾವಧಿಯಲ್ಲಿ ಪಡೆಯುವ ಮೊತ್ತದ ಒಟ್ಟು ಮೊತ್ತದ ಲೆಕ್ಕಾಚಾರ ಇಲಾಖೆಗಳಲ್ಲಿ ಇನ್ನು ಆಗಿರುವುದಿಲ್ಲ. ಹಾಗೆಯೇ ನಿವೃತ್ತಿ ಸೌಲಭ್ಯಗಳ ಒಟ್ಟಾರೆ ಆರ್ಥಿಕ ಹೊರೆ ಸಹ ಲೆಕ್ಕಹಾಕಿರುವುದಿಲ್ಲ. ಈ ಎರಡು ಮೊತ್ತಗಳ ಮಾಹಿತಿಯನ್ನು ಸಂಗ್ರಹಿಸಲಾಗುತ್ತಿದೆ. ಅನುದಾನರಹಿತ ಸೇವಾವಧಿಯ ಸಂಬಂಧ ನೀಡಬೇಕಾದ ವೇತನ ಬಾಕಿ ಮೊತ್ತ ರೂ.3083.54 ಕೋಟಿಗಳೆಂದು ಅಂದಾಜಿಸಲಾಗಿದೆ.<br>ಮೇಲ್ಕಂಡ ಅಂಶಗಳ ಹಿನ್ನೆಲೆಯಲ್ಲಿ ಸಮಿತಿಯ ಶಿಫಾರಸ್ಸುಗಳನ್ನು ಜಾರಿಗೆ ತರುವಲ್ಲಿ ನಿರ್ದಿಷ್ಟ ನಿಲುವನ್ನು ತಳೆಯಲು ಸರ್ಕಾರಕ್ಕೆ ಸಾಧ್ಯವಾಗಿರುವುದಿಲ್ಲ. |
| ಈ | ಇಲ್ಲವಾದಲ್ಲಿ, ವಿಳಂಬವಾಗುತ್ತಿರುವುದಕ್ಕೆ ಕಾರಣಗಳೇನು; ಯಾವ ಕಾಲಮಿತಿಯೊಳಗೆ ಶಿಫಾರಸ್ಸುಗಳನ್ನು ಅನುಷ್ಠಾನಗೊಳಿಸಲಾಗುವುದು? | |

ಇಪಿ 148 ಎಸ್‌ಇಎಸ್ 2021

(ಬಿ.ಸಿ.ನಾಗೇಶ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ
ಹಾಗೂ ಸಕಾಲ ಸಚಿವರು